ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಬುಧವಾರ, ದಿನಾಂಕ : 03 ನೇ ಫೆಬ್ರುವರಿ, 2021

ಮಾಜಿ ಸೈನಿಕರಿಗೆ ನೀಡಿದ್ದ ಹಕ್ಕು ಪತ್ರ ರದ್ದುಪಡಿಸಿರುವ ಕುರಿತು

ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು) :-

307 (344) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕೊಡಗು ಜಿಲ್ಲೆಯಲ್ಲಿ ಮಾಜಿ ಸೈನಿಕರು ಹಾಗೂ ಅವರ ಅವಲಂಬಿತರು ಪೈಸಾರಿ ಜಾಗವನ್ನು ಒತ್ತುವರಿ ಮಾಡಿಕೊಂಡು ವ್ಯವಸಾಯ ಮಾಡುತ್ತಾ ಬಂದಿರುವ ಜಾಗಕ್ಕೆ ಈಗಾಗಲೇ ವಿತರಿಸಿರುವ ಹಕ್ಕುಪತ್ರವನ್ನು ರದ್ದುಪಡಿಸಿರುವುದರಿಂದ, ಮಾಜಿ ಸೈನಿಕರಿಗೆ ಅನ್ಯಾಯವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಈಗಾಗಲೇ ನೀಡಿರುವ ಹಕ್ಕು ಪತ್ರಗಳನ್ನು ಏಕಾಏಕಿ ರದ್ದು ಮಾಡಲು ಕಾರಣಗಳೇನು;

(ಇ) ಜಿಲ್ಲಾಡಳಿತದಿಂದ ಸೂಕ್ತ ಹಾಗೂ ವಿಸ್ತಾರವಾದ ವಿಚಾರಣೆ ಮಾಡಿ, ದೇಶ ಸೇವೆಗೆ ತಮ್ಮ ಜೀವನವನ್ನೇ ಮುಡುಪಾಗಿಟ್ಟ ಮಾಜಿ ಸೈನಿಕರಿಗೆ ನ್ಯಾಯ ಒದಗಿಸಲು ಕ್ರಮ ವಹಿಸಲಾಗುವುದೇ?